# ಕರ್ನಾಟಕ ವಿಧಾನ ಪರಿಷತ್ತು

| | |
|---|---|
| ಚುಕ್ಕೆ ಗುರುತಿಲ್ಲದ ಪ್ರಶ್ನೆ ಸಂಖ್ಯೆ | 1182 |
| ಸದಸ್ಯರ ಹೆಸರು | ಶ್ರೀ ಎಸ್.ವೀಣಾ ಅಚ್ಚಯ್ಯ |
| ಉತ್ತರಿಸುವ ದಿನಾಂಕ | 22-09-2021 |
| ಉತ್ತರಿಸುವವರು | ಮಾನ್ಯ ಮುಜರಾಯಿ, ಹಜ್ ಹಾಗೂ ವಕ್ಫ್ ಸಚಿವರು |

| ಕ್ರ. ಸಂ | ಪ್ರಶ್ನೆ | ಉತ್ತರ |
|---|---|---|
| ಅ) | ದೇಶದ ಅತ್ಯಂತ ಪವಿತ್ರ ಧಾರ್ಮಿಕ ಶ್ರದ್ಧಾ ಕೇಂದ್ರಗಳಲ್ಲಿ ಒಂದಾದ ಕೊಡಗು ಜಿಲ್ಲೆಯಲ್ಲಿನ ತಲಕಾವೇರಿಯಲ್ಲಿ ಪ್ರವಾಸಿಗರು ತಮ್ಮ ಭೇಟಿಯ ಸಂದರ್ಭದಲ್ಲಿ ಧಾರ್ಮಿಕ ನಂಬಿಕೆಗಳಿಗೆ ಧಕ್ಕೆ ಬರುವ ರೀತಿಯಲ್ಲಿ ನಡೆದುಕೊಳ್ಳುತ್ತಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ? | ಕೊಡಗು ಜಿಲ್ಲೆಯ ತಲಕಾವೇರಿಯಲ್ಲಿ ಪ್ರವಾಸಿಗರು ತಮ್ಮ ಭೇಟಿಯ ಸಂದರ್ಭದಲ್ಲಿ ಧಾರ್ಮಿಕ ನಂಬಿಕೆಗಳಿಗೆ ಧಕ್ಕೆ ಬರುವ ರೀತಿಯಲ್ಲಿ ನಡೆದುಕೊಳ್ಳುತ್ತಿರುವ ಪ್ರಕರಣಗಳು ಕಂಡು ಬಂದಿರುವುದಿಲ್ಲ. |
| ಆ) | ಬಂದಿದ್ದಲ್ಲಿ ಪವಿತ್ರ ಧಾರ್ಮಿಕ ಶ್ರದ್ಧಾ ಕೇಂದ್ರವಾದ ತಲಕಾವೇರಿಯನ್ನು ಪ್ರವಾಸಿ ತಾಣದ ರೀತಿಯಲ್ಲಿ ಪರಿಗಣಿಸಿ ಧಾರ್ಮಿಕ ಶ್ರದ್ಧೆಗೆ ವಿರುದ್ಧದ ರೀತಿಯ ಚಟುವಟಿಕೆಗಳನ್ನು ಮಾಡುತ್ತಿರುವ ಪ್ರವಾಸಿಗರಿಗೆ ನಿರ್ಬಂಧಗಳನ್ನು ವಿಧಿಸುವ ಮೂಲಕ ಕ್ಷೇತ್ರದ ಧಾರ್ಮಿಕ ಪಾವಿತ್ರ್ಯತೆಯನ್ನು ಕಾಪಾಡಲು ಮುಜರಾಯಿ ಇಲಾಖೆ ಏನು ಕ್ರಮ ಕೈಗೊಂಡಿದೆ; | ಅನ್ವಯಿಸುವುದಿಲ್ಲ. |
| ಇ) | ತಲಕಾವೇರಿ ಕ್ಷೇತ್ರದಲ್ಲಿ ಧಾರ್ಮಿಕ ಚಟುವಟಿಕೆಗಳಿಗೆ ಮಾತ್ರ ಅವಕಾಶವಿರುವಂತೆ ಸ್ಪಷ್ಟ ಹಾಗೂ ಕಡ್ಡಾಯ ನಿಯಮ ಹಾಗೂ ಮಾರ್ಗಸೂಚಿಗಳನ್ನು ಅಳವಡಿಸಿ, ಅವುಗಳ ಪಾಲನೆಯಾಗುವಂತೆ ಮಾಡಲು ಸರ್ಕಾರ ಕೂಡಲೇ ಸೂಕ್ತ ಕ್ರಮ ಕೈಗೊಳ್ಳುವುದೇ? | ತಲಕಾವೇರಿ ಶ್ರೀ ಕ್ಷೇತ್ರದಲ್ಲಿ ಧಾರ್ಮಿಕ ಚಟುವಟಿಕೆಗಳಿಗೆ ಮಾತ್ರ ಅವಕಾಶವಿರುವಂತೆ ಸ್ಪಷ್ಟ ಹಾಗೂ ಕಡ್ಡಾಯ ಮಾರ್ಗಸೂಚಿಗಳನ್ನು ಅಳವಡಿಸಲಾಗಿದ್ದು, ದೇವಾಲಯದ ಮುಂಭಾಗದಲ್ಲಿ ನಾಮಫಲಕಗಳನ್ನು ಅಳವಡಿಸಿ ಪಾಲಿಸಲಾಗುತ್ತಿದೆ. |

ಸಂಖ್ಯೆ: ಕಂಇ 198 ಮುಸಪ್ರ 2021

(ಶಶಿಕಲಾ. ಅ. ಜೊಲ್ಲೆ)
ಮುಜರಾಯಿ, ಹಜ್ ಹಾಗೂ ವಕ್ಫ್ ಸಚಿವರು